ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆ



ಕರ್ನಾಟಕ ವಿಧಾನ ಪರಿಷತ್ತು

ನೂರ ನಲವತ್ತನೆಯ ಅಧಿವೇಶನ

ಶುಕ್ರವಾರ, ದಿನಾಂಕ : 20 ನೇ ಮಾರ್ಚ್, 2020

ತೆಗ್ಗಿ ಗ್ರಾಮದಲ್ಲಿ ಸಾಮೂಹಿಕ ಶೌಚಾಲಯ ನಿರ್ಮಿಸುವ ಕುರಿತು

ಶ್ರೀ ಪ್ರಕಾಶ್ ಕೆ. ರಾಥೋಡ್(ನಾಮನಿರ್ದೇಶನ ಹೊಂದಿದವರು):-

1361 (1606) ಮಾನ್ಯ ಗ್ರಾಮೀಣಾಭಿವೃದ್ಧಿ ಮತ್ತು ಪಂಚಾಯತ್ ರಾಜ್ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ:-

(ಅ) ಬಾಗಲಕೋಟೆ ಜಿಲ್ಲೆ ಬೀಳಗಿ ತಾಲ್ಲೂಕಿನ ತೆಗ್ಗಿ ಗ್ರಾಮ ಪಂಚಾಯತ್ ವ್ಯಾಪ್ತಿಯಲ್ಲಿ ಬರುವ ತೆಗ್ಗಿ ಗ್ರಾಮ ಸಾವಿರಾರು ಜನಸಂಖ್ಯೆಯುಳ್ಳ ಗ್ರಾಮವಾಗಿದ್ದು ಹಾಗೂ ಸದರಿ ಗ್ರಾಮವು ಗ್ರಾಮ ಪಂಚಾಯಿತಿಯ ಕೇಂದ್ರವಾಗಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ ;

(ಆ) ಸದರಿ ಗ್ರಾಮ ಪಂಚಾಯಿತಿಯ ವ್ಯಾಪ್ತಿಯಲ್ಲಿ ಬರುವ ಸಾರ್ವಜನಿಕರಿಗೆ ಹಾಗೂ ಗ್ರಾಮಸ್ಥರಿಗೆ ಸಾಮೂಹಿಕ ಶೌಚಾಲಯ ಇಲ್ಲದಿರುವುದು ನಿಜವೇ ; (ಸಂಪೂರ್ಣ ವಿವರ ನೀಡುವುದು)

(ಇ) ಸದರಿ ಗ್ರಾಮ ಪಂಚಾಯಿತಿಯಲ್ಲಿ ಸಾರ್ವಜನಿಕರಿಗೆ ಹಾಗೂ ಗ್ರಾಮಸ್ಥರಿಗೆ ಅನುಕೂಲವಾಗುವ ರೀತಿಯಲ್ಲಿ ಶೌಚಾಲಯ ನಿರ್ಮಿಸುವಂತೆ ಹಲವು ಭಾರಿ ಮನವಿ ಮಾಡಿಕೊಂಡಿರುವುದು ನಿಜವೇ; ಹಾಗಿದ್ದಲ್ಲಿ, ಯಾವ ಕಾಲಮಿತಿಯೊಳಗೆ ಸಾರ್ವಜನಿಕ ಉಪಯೋಗಕ್ಕಾಗಿ ಸಾಮೂಹಿಕ ಶೌಚಾಲಯ ನಿರ್ಮಿಸಲಾಗುವುದು ; (ಸಂಪೂರ್ಣ ವಿವರ ನೀಡುವುದು)

(ಈ) ಸದರಿ ಗ್ರಾಮ ಪಂಚಾಯಿತಿಯಲ್ಲಿ ಸರ್ಕಾರಿ ಹಾಗೂ ಖಾಸಗಿ ಬಸ್ ನಿಲ್ದಾಣ ಮತ್ತು ಸೇಡಜಿ ಪ್ಲಾಟ್ (ಲಡ್ಡು ಮುತ್ಯಾನ ಗುಡಿ ಹತ್ತಿರ) ಬಡಾವಣೆಯಲ್ಲಿ ಶೌಚಾಲಯ ನಿರ್ಮಿಸಲು ಕ್ರಮ ಕೈಗೊಳ್ಳಲಾಗುವುದೇ ? (ವಿವರ ನೀಡುವುದು)